ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ರಾಜ್ಯದಲ್ಲಿ ಸರ್ಕಾರದ ಅನುಮತಿಯನ್ನು ಪಡೆಯದೆ ಕಾರ್ಯನಿರ್ವಹಿಸುತ್ತಿರುವ ಪ್ಲೇ-ಸ್ಕೂಲ್‌ಗಳ ಕುರಿತು

ಶ್ರೀ ಹೆಚ್. ಎಂ. ರಮೇಶ್ ಗೌಡ(ವಿಧಾನಸಭೆಯಿಂದ ಚುನಾಯಿತರಾದವರು) –

89 (23) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯ ಸರ್ಕಾರದ ಅನುಮತಿಯನ್ನು ಪಡೆಯದೆ ಪ್ಲೇ-ಸ್ಕೂಲ್‌ಗಳು ಕಾರ್ಯನಿರ್ವಹಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಅವುಗಳನ್ನು ನಿಯಂತ್ರಿಸಲು ಯಾವ ಕ್ರಮ ಕೈಗೊಂಡಿದೆ; (ಸಂಪೂರ್ಣ ವಿವರ ನೀಡುವುದು)

(ಇ) ರಾಜ್ಯದಲ್ಲಿ ಸರ್ಕಾರದ ಅನುಮತಿಯನ್ನು ಪಡೆದು ಎಷ್ಟು ಪ್ಲೇ-ಸ್ಕೂಲ್‌ಗಳು ಕಾರ್ಯನಿರ್ವಹಿಸುತ್ತಿವೆ; (ವಿವರ ನೀಡುವುದು)

(ಈ) ರಾಜ್ಯದಲ್ಲಿ ಪ್ಲೇ-ಸ್ಕೂಲ್‌ಗಳ ಜೊತೆಯಲ್ಲಿ ಖಾಸಗಿ ಟ್ಯೂಶನ್ ಕೇಂದ್ರಗಳು (ಮನೆ ಪಾಠ) ಹೆಚ್ಚಿನ ಶುಲ್ಕವನ್ನು ಪಡೆದು ಕಾರ್ಯನಿರ್ವಹಿಸುತ್ತಿರುವುದು ನಿಜವೇ; ಹಾಗಿದ್ದಲ್ಲಿ, ಅವುಗಳ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಂಡಿದೆ? (ವಿವರ ನೀಡುವುದು)